

# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ : 977
ಸದಸ್ಯರ ಹೆಸರು : ಶ್ರೀ ಆರ್. ಧರ್ಮಸೇನ
ಉತ್ತರಿಸುವ ದಿನಾಂಕ : 21/12/2021
ಉತ್ತರಿಸುವ ಸಚಿವರು : ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ ಸಾರ್ವಜನಿಕ ಉದ್ದಿಮೆಗಳ ಸಚಿವರು.

| ಕ್ರ. ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಮೈಸೂರು ಮತ್ತು ಚಾಮರಾಜನಗರ ಜಿಲ್ಲೆಗಳಲ್ಲಿ ಯಾವ ಯಾವ ಗ್ರಾಮ ಪಂಚಾಯಿತಿಗಳನ್ನು ಪಟ್ಟಣ ಪಂಚಾಯಿತಿಗಳಾಗಿ ಹಾಗೂ ಪುರಸಭೆಗಳನ್ನು ನಗರ ಸಭೆಗಳಾಗಿ ಮೇಲ್ದರ್ಜೆಗೇರಿಸುವ ಉದ್ದೇಶ ಸರ್ಕಾರಕ್ಕಿದೆ; | ಮೈಸೂರು ಮತ್ತು ಚಾಮರಾಜನಗರ ಜಿಲ್ಲೆಗಳಲ್ಲಿನ ಯಾವುದೇ ಗ್ರಾಮ ಪಂಚಾಯಿತಿಯನ್ನು ಪಟ್ಟಣ ಪಂಚಾಯಿತಿಯನ್ನಾಗಿ ಹಾಗೂ ಪುರಸಭೆಯನ್ನು ನಗರಸಭೆಯನ್ನಾಗಿ ಮೇಲ್ದರ್ಜೆಗೇರಿಸುವ ಪ್ರಸ್ತಾವನೆ ಸರ್ಕಾರದಲ್ಲಿ ಇರುವುದಿಲ್ಲ.<br><br>ಮೈಸೂರು ಮತ್ತು ಚಾಮರಾಜನಗರ ಜಿಲ್ಲಾಧಿಕಾರಿಗಳಿಂದ ಸೂಕ್ತ ಮತ್ತು ಅರ್ಹ ಪ್ರಸ್ತಾವನೆಗಳು ಸ್ವೀಕೃತವಾದಲ್ಲಿ ನಿಯಮಾನುಸಾರ ಕ್ರಮವಹಿಸಲಾಗುತ್ತದೆ. |
| ಆ) | ಈ ಬಗ್ಗೆ ಪ್ರಸ್ತಾವನೆಗಳೇನಾದರೂ ಸರ್ಕಾರಕ್ಕೆ ಬಂದಿವೆಯೇ; | |
| ಇ) | ಸ್ಥಳೀಯ ಸಂಸ್ಥೆಗಳನ್ನು ಮೇಲ್ದರ್ಜೆಗೇರಿಸಲು ಇರುವ ಮಾನದಂಡಗಳೇನು? | ಪಟ್ಟಣ ಪಂಚಾಯಿತಿಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪುರಸಭೆಗಳ ಅಧಿನಿಯಮ 1964 ರ ಕಲಂ–349 ರನ್ವಯ ಈ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:<br>1. ಅಂತಹ ಪ್ರದೇಶದ ಜನಸಂಖ್ಯೆಯು 10,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 20,000 ಕ್ಕೆ ಹೆಚ್ಚಿಲ್ಲದಂತಿರಬೇಕು;<br>2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚ.ಕಿ.ಮೀ ವಿಸ್ತೀರ್ಣಕ್ಕೆ 400 ಕ್ಕಿಂತ ಕಡಿಮೆ ಇಲ್ಲದಿರುವುದು;<br>3. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು.<br><br>ಅಲ್ಲದೇ ಅಂಥ ಪ್ರದೇಶದಲ್ಲಿ ತಾಲ್ಲೂಕು ಕೇಂದ್ರ ಕಾರ್ಯಸ್ಥಾನವು ಇದ್ದಲ್ಲಿ, ಆ ಪ್ರದೇಶವು 10,000 ಕ್ಕಿಂತ ಕಡಿಮೆ ಜನಸಂಖ್ಯೆಯನ್ನು ಹೊಂದಿದ್ದರೂ ಸಹ ಆ ಪ್ರದೇಶವನ್ನು ಪಟ್ಟಣ ಪಂಚಾಯಿತಿಯನ್ನಾಗಿ ಪರಿವರ್ತಿಸಬಹುದು.<br><br>ದಿನಾಂಕ:19/03/2015 ರ ಸಚಿವ ಸಂಪುಟ ಸಭೆಯ ನಿರ್ಣಯದಂತೆ 15,000 ಕ್ಕಿಂತ ಹೆಚ್ಚು ಜನಸಂಖ್ಯೆ ಹೊಂದಿರುವ ಗ್ರಾಮ ಪಂಚಾಯಿತಿಗಳನ್ನು ಮಾತ್ರ ಮೇಲ್ದರ್ಜೆಗೇರಿಸಲು ಕ್ರಮವಹಿಸಲಾಗಿರುತ್ತದೆ. |

ಪುರಸಭೆಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪೌರಸಭೆಗಳ ಅಧಿನಿಯಮ 1964 ರ ನಿಯಮ-3 & 9 ರನ್ವಯ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:

1. ಆ ಪ್ರದೇಶದ ಜನಸಂಖ್ಯೆ 20,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 50,000 ಕ್ಕೆ ಹೆಚ್ಚಿಲ್ಲದಂತಿರಬೇಕು;
2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚದರ ಕಿ.ಮೀ. ವಿಸ್ತೀರ್ಣಕ್ಕೆ 1,500 ಕ್ಕಿಂತ ಕಡಿಮೆ ಇಲ್ಲದಿರುವುದು;
3. ಹಿಂದಿನ ನಿಕಟಪೂರ್ವ ಜನಗಣತಿಯಲ್ಲಿ ಅಂತಹ ಪ್ರದೇಶದಿಂದ ಸ್ಥಳೀಯ ಆಡಳಿತಕ್ಕಾಗಿ ತೆರಿಗೆ ಮತ್ತು ತೆರಿಗೆಯಲ್ಲದ ಇತರ ಸಂಪನ್ಮೂಲಗಳಿಂದ ಉತ್ಪಾದಿತವಾದ ರಾಜಸ್ವ ವಾರ್ಷಿಕ ಒಂಭತ್ತು ಲಕ್ಷ ಅಥವಾ ವಾರ್ಷಿಕ ತಲಾ ಒಬ್ಬರಿಗೆ 45 ರೂಪಾಯಿಗಳ ದರದಂತೆ ಲೆಕ್ಕ ಹಾಕಲಾದ ಮೊತ್ತ ಇವೆರಡರಲ್ಲಿ ಯಾವುದು ಹೆಚ್ಚೋ ಆ ಮೊತ್ತಕ್ಕಿಂತ ಕಡಿಮೆ ಇರದ ಹೊರತು;
4. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು.

ನಗರಸಭೆಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪೌರಸಭೆಗಳ ಅಧಿನಿಯಮ 1964 ರ ನಿಯಮ-3 ರನ್ವಯ ಈ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:

1. ಆ ಪ್ರದೇಶದ ಜನಸಂಖ್ಯೆ 50,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 3 ಲಕ್ಷಕ್ಕೆ ಹೆಚ್ಚಿಲ್ಲದಂತಿರಬೇಕು;
2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚದರ ಕಿ.ಮೀ. ವಿಸ್ತೀರ್ಣಕ್ಕೆ 1,500 ಕ್ಕಿಂತ ಕಡಿಮೆ ಇಲ್ಲದಿರುವುದು;
3. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು;
4. ಹಿಂದಿನ ನಿಕಟಪೂರ್ವ ಜನಗಣತಿಯಲ್ಲಿ ಅಂತಹ ಪ್ರದೇಶದಿಂದ ಸ್ಥಳೀಯ ಆಡಳಿತಕ್ಕಾಗಿ ತೆರಿಗೆ ಮತ್ತು ತೆರಿಗೆಯಲ್ಲದ ಇತರ ಸಂಪನ್ಮೂಲಗಳಿಂದ ಉತ್ಪಾದಿತವಾದ ರಾಜಸ್ವ ವಾರ್ಷಿಕ ಒಂಬತ್ತು ಲಕ್ಷ ಅಥವಾ ವಾರ್ಷಿಕ ತಲಾ ಒಬ್ಬರಿಗೆ 45 ರೂಪಾಯಿಗಳ ದರಬಂತೆ ಲೆಕ್ಕ ಹಾಕಲಾದ ಮೊತ್ತ ಇವೆರಡರಲ್ಲಿ ಯಾವುದು ಹೆಚ್ಚೋ ಆ ಮೊತ್ತಕ್ಕಿಂತ ಕಡಿಮೆ ಇರದ ಹೊರತು.

| | | |
|---|---|---|
| | | ಪುರಸಭೆಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪೌರಸಭೆಗಳ ಅಧಿನಿಯಮ 1964 ರ ನಿಯಮ-3 & 9 ರನ್ವಯ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:<br>1. ಆ ಪ್ರದೇಶದ ಜನಸಂಖ್ಯೆ 20,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 50,000 ಕ್ಕೆ ಹೆಚ್ಚಿಲ್ಲದಂತಿರಬೇಕು;<br>2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚದರ ಕಿ.ಮೀ. ವಿಸ್ತೀರ್ಣಕ್ಕೆ 1,500 ಕ್ಕಿಂತ ಕಡಿಮೆ ಇಲ್ಲದಿರುವುದು;<br>3. ಹಿಂದಿನ ನಿಕಟಪೂರ್ವ ಜನಗಣತಿಯಲ್ಲಿ ಅಂತಹ ಪ್ರದೇಶದಿಂದ ಸ್ಥಳೀಯ ಆಡಳಿತಕ್ಕಾಗಿ ತೆರಿಗೆ ಮತ್ತು ತೆರಿಗೆಯಲ್ಲದ ಇತರ ಸಂಪನ್ಮೂಲಗಳಿಂದ ಉತ್ಪಾದಿತವಾದ ರಾಜಸ್ವ ವಾರ್ಷಿಕ ಒಂಭತ್ತು ಲಕ್ಷ ಅಥವಾ ವಾರ್ಷಿಕ ತಲಾ ಒಬ್ಬರಿಗೆ 45 ರೂಪಾಯಿಗಳ ದರದಂತೆ ಲೆಕ್ಕ ಹಾಕಲಾದ ಮೊತ್ತ ಇವೆರಡರಲ್ಲಿ ಯಾವುದು ಹೆಚ್ಚೋ ಆ ಮೊತ್ತಕ್ಕಿಂತ ಕಡಿಮೆ ಇರದ ಹೊರತು;<br>4. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು.<br><br>ನಗರಸಭೆಯನ್ನಾಗಿ ಮೇಲ್ದರ್ಜೆಗೇರಿಸಲು ಕರ್ನಾಟಕ ಪೌರಸಭೆಗಳ ಅಧಿನಿಯಮ 1964 ರ ನಿಯಮ-3 ರನ್ವಯ ಈ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:<br>1. ಆ ಪ್ರದೇಶದ ಜನಸಂಖ್ಯೆ 50,000 ಕ್ಕೆ ಕಡಿಮೆ ಇಲ್ಲದಂತೆ ಹಾಗೂ 3 ಲಕ್ಷಕ್ಕೆ ಹೆಚ್ಚಿಲ್ಲದಂತಿರಬೇಕು;<br>2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚದರ ಕಿ.ಮೀ. ವಿಸ್ತೀರ್ಣಕ್ಕೆ 1,500 ಕ್ಕಿಂತ ಕಡಿಮೆ ಇಲ್ಲದಿರುವುದು;<br>3. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು;<br>4. ಹಿಂದಿನ ನಿಕಟಪೂರ್ವ ಜನಗಣತಿಯಲ್ಲಿ ಅಂತಹ ಪ್ರದೇಶದಿಂದ ಸ್ಥಳೀಯ ಆಡಳಿತಕ್ಕಾಗಿ ತೆರಿಗೆ ಮತ್ತು ತೆರಿಗೆಯಲ್ಲದ ಇತರ ಸಂಪನ್ಮೂಲಗಳಿಂದ ಉತ್ಪಾದಿತವಾದ ರಾಜಸ್ವ ವಾರ್ಷಿಕ ಒಂಬತ್ತು ಲಕ್ಷ ಅಥವಾ ವಾರ್ಷಿಕ ತಲಾ ಒಬ್ಬರಿಗೆ 45 ರೂಪಾಯಿಗಳ ದರದಂತೆ ಲೆಕ್ಕ ಹಾಕಲಾದ ಮೊತ್ತ ಇವೆರಡರಲ್ಲಿ ಯಾವುದು ಹೆಚ್ಚೋ ಆ ಮೊತ್ತಕ್ಕಿಂತ ಕಡಿಮೆ ಇರದ ಹೊರತು. |

.....3...

| | | |
|---|---|---|
| | | ಅಲ್ಲದೇ ಅಂಥ ಪ್ರದೇಶದಲ್ಲಿ ಜಿಲ್ಲಾ ಕೇಂದ್ರ ಕಾರ್ಯಸ್ಥಾನವು ಇದ್ದಲ್ಲಿ, ಆ ಪ್ರದೇಶವು 50,000 ಕ್ಕಿಂತ ಕಡಿಮೆ ಜನಸಂಖ್ಯೆಯನ್ನು ಹೊಂದಿದ್ದರೂ ಸಹ ಆ ಪ್ರದೇಶವನ್ನು ನಗರಸಭೆಯನ್ನಾಗಿ ಪರಿವರ್ತಿಸಬಹುದು.<br><br>ಮಹಾನಗರಪಾಲಿಕೆಯನ್ನಾಗಿ ಮೇಲ್ದರ್ಜೆಗೇರಿಸಬೇಕಾದಲ್ಲಿ ಕರ್ನಾಟಕ ಮಹಾನಗರ ಪಾಲಿಕೆಗಳ ಅಧಿನಿಯಮ 1976 ರ ನಿಯಮ-3 ರನ್ವಯ ಈ ಕೆಳಕಂಡ ಮಾನದಂಡಗಳನ್ನು ಅನುಸರಿಸಲಾಗುತ್ತದೆ:<br>1. ಅಂತಹ ಪ್ರದೇಶದ ಜನಸಂಖ್ಯೆ 03 ಲಕ್ಷಕ್ಕಿಂತ ಕಡಿಮೆ ಇಲ್ಲದ ಹೊರತು;<br>2. ಅಂತಹ ಪ್ರದೇಶದ ಜನಸಂಖ್ಯೆಯ ಜನಸಾಂದ್ರತೆಯು ಆ ಪ್ರದೇಶದ ಒಂದು ಚದರ ಕಿಲೋ ಮೀಟರ್ ವಿಸ್ತೀರ್ಣಕ್ಕೆ 3,000 ಕ್ಕಿಂತ ಕಡಿಮೆ ಇಲ್ಲದಿರುವುದು;<br>3. ಹಿಂದಿನ ನಿಕಟಪೂರ್ವ ಜನಗಣತಿಯಲ್ಲಿ ಅಂತಹ ಪ್ರದೇಶದಿಂದ ಸ್ಥಳೀಯ ಆಡಳಿತಕ್ಕಾಗಿ ತೆರಿಗೆ ಮತ್ತು ತೆರಿಗೆಯಿಲ್ಲದ ಇತರ ಸಂಪನ್ಮೂಲಗಳಿಂದ ಉತ್ಪಾದಿತವಾದ ರಾಜಸ್ವ ವಾರ್ಷಿಕ ಆರು ಕೋಟಿ ಅಥವಾ ವಾರ್ಷಿಕ ತಲಾ ಒಬ್ಬರಿಗೆ 200 ರೂಪಾಯಿಗಳ ದರದಂತೆ ಲೆಕ್ಕಹಾಕಲಾದ ಮೊತ್ತ ಇವೆರಡರಲ್ಲಿ ಯಾವುದು ಹೆಚ್ಚೋ ಆ ಮೊತ್ತಕ್ಕಿಂತ ಕಡಿಮೆ ಇರದ ಹೊರತು;<br>4. ಕೃಷಿಯೇತರ ಚಟುವಟಿಕೆಗಳಲ್ಲಿನ ಉದ್ಯೋಗಾವಕಾಶಗಳ ಶೇಕಡಾವಾರು ಪ್ರಮಾಣವು ಒಟ್ಟು ಉದ್ಯೋಗದ ಪ್ರಮಾಣಕ್ಕಿಂತ ಶೇ.50 ಕ್ಕಿಂತ ಕಡಿಮೆ ಇಲ್ಲದಿರುವುದು. |

ಸಂಖ್ಯೆ: ನಅಇ 44 ಎಲ್‌ಸಿಕ್ಯೂ 2021.

(ಎನ್. ನಾಗರಾಜು ಎಂ ಟಿ ಬಿ)
ಮಾನ್ಯ ಪೌರಾಡಳಿತ, ಸಣ್ಣ ಕೈಗಾರಿಕೆಗಳು ಹಾಗೂ
ಸಾರ್ವಜನಿಕ ಉದ್ದಿಮೆಗಳ ಸಚಿವರು